ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ರಾಜ್ಯದಲ್ಲಿ ಹೊಸ ಶಿಕ್ಷಣ ನೀತಿಯನ್ನು (NEP) ಅಳವಡಿಸುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

10 (39) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯ ಸರ್ಕಾರವು ಹೊಸ ಶಿಕ್ಷಣ ನೀತಿಯನ್ನು (NEP) ಯಾವಾಗ ಅಳವಡಿಸಿಕೊಳ್ಳಲಾಗುವುದು; ಹಾಗಿದ್ದಲ್ಲಿ ಕೈಗೊಂಡ ಕ್ರಮಗಳೇನು;

(ಆ) ಈ ಹೊಸ ಶಿಕ್ಷಣ ನೀತಿಯಿಂದಾಗಿ ಪ್ರಾಥಮಿಕ ಹಾಗೂ ಪ್ರೌಢ ಶಿಕ್ಷಣದ ಪಠ್ಯಕ್ರಮಗಳಲ್ಲಿ ಬದಲಾವಣೆಯಾಗುವುದೇ; ಹಾಗಿದ್ದಲ್ಲಿ, ವಿದ್ಯಾರ್ಥಿಗಳಿಗೆ ಹೊಸ ಪಠ್ಯಕ್ರಮಗಳ ಬಗ್ಗೆ ಕೈಗೊಂಡಿರುವ ಕ್ರಮಗಳೇನು;

(ಇ) ಹೊಸ ಶಿಕ್ಷಣ ನೀತಿಯ ಪಠ್ಯಕ್ರಮ ಅನುಸರಿಸಲು ಪ್ರಾಥಮಿಕ ಹಾಗೂ ಪ್ರೌಢ ಶಾಲಾ ಶಿಕ್ಷಕರಿಗೆ ತರಬೇತಿ ನೀಡಲಾಗುವುದೇ; (ವಿವರ ನೀಡುವುದು)

(ಈ) ಕೋವಿಡ್-19 ಪೆಂಡಮಿಕ್‌ನಿಂದಾಗಿ ಖಾಸಗಿ ಶಾಲೆಗಳು ಅಧಿಕ ಶುಲ್ಕವನ್ನು ಭರಿಸುವಂತೆ ಪೋಷಕರ ಮತ್ತು ವಿದ್ಯಾರ್ಥಿಗಳ ಮೇಲೆ ಒತ್ತಡ ಹೇರುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಇದಕ್ಕೆ ಕಡಿವಾಣ ಹಾಕಲು ಸರ್ಕಾರ ಕೈಗೊಂಡ ಕ್ರಮಗಳೇನು; (ವಿವರ ನೀಡುವುದು)

(ಉ) ಸರ್ಕಾರಿ ಪ್ರೌಢಶಾಲಾ ಮುಖ್ಯೋಪಾಧ್ಯಾಯರುಗಳು 20 ವರ್ಷ ಸೇವೆ ಸಲ್ಲಿಸಿದ್ದರೂ ಸಹ ಮುಂಬಡ್ತಿಯಿಂದ ವಂಚಿತರಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಮುಂಬಡ್ತಿ ನೀಡಲಾಗುವುದೇ?